4) Deputy Director (RCH), NRHM — Member
5) Deputy Director (Training), SIHFW — Member
6) Deputy Director (OD), KHSDRP — Member Secretary

By order and in the name of the President of India,

PR. 506

**SUSHAMA GODBOLE**

Deputy Secretary to Government,
Department of Health and Family Welfare

**ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸಚಿವಾಲಯ**

**ವಿಷಯ :** ಡಾ: ಶ್ರೀನಾಥ ಎಸ್.ಆರ್. ವೈದ್ಯಾಧಿಕಾರಿ, ಚಿಗಟೇರಿ ಜಿಲ್ಲಾ ಆಸ್ಪತ್ರೆ, ದಾವಣಗೆರೆ ಇವರ ರಾಜೀನಾಮೆಯನ್ನು ಅಂಗೀಕರಿಸುವ ಬಗ್ಗೆ.

**ಓದಲಾಗಿದೆ:** 1. ಆಯುಕ್ತರು, ಆಕುಕ ಸೇವೆಗಳು, ಬೆಂಗಳೂರು, ಇವರ ಪತ್ರ ಸಂಖ್ಯೆ: ಜೆಆರ್ಒ (5) 82/2006–07, ದಿನಾಂಕ 13–6–2007.

**ಪ್ರಸ್ತಾವನೆ :**

ಮೇಲೆ ಓದಲಾದ ಆಯುಕ್ತರು, ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸೇವೆಗಳು, ಬೆಂಗಳೂರು ಇವರ ಪತ್ರದಲ್ಲಿ ಡಾ: ಶ್ರೀನಾಥ ಎಸ್.ಆರ್. ವೈದ್ಯಾಧಿಕಾರಿ, ಚಿಗಟೇರಿ ಜಿಲ್ಲಾ ಆಸ್ಪತ್ರೆ, ದಾವಣಗೆರೆ ಇವರು ದಿನಾಂಕ 26–6–2004ರಂದು ಸರ್ಕಾರಿ ಸೇವೆಗೆ ಸೇರಿದ್ದು, ಸ್ನಾತಕೋತ್ತರ ವ್ಯಾಸಂಗಕ್ಕೆ ತೆರಳಬೇಕಾದ ಪ್ರಯುಕ್ತ ದಿನಾಂಕ 31–10–2006 ರಿಂದ ಅನ್ವಯಿಸುವಂತೆ ತಮ್ಮ ಹುದ್ದೆಗೆ ರಾಜೀನಾಮೆ ಸಲ್ಲಿಸಿದ್ದು, ಸದರಿಯವರ ವಿರುದ್ಧ ಯಾವುದೇ ಇಲಾಖಾ ವಿಚಾರಣೆ ಬಾಕಿ ಇರುವುದಿಲ್ಲ ಹಾಗೂ ಸರ್ಕಾರಕ್ಕೆ ಯಾವುದೇ ಬಾಕಿ ಬರಬೇಕಾಗಿರುವುದಿಲ್ಲವಾದ್ದರಿಂದ ಸದರಿ ವೈದ್ಯರ ರಾಜೀನಾಮೆಯನ್ನು ಅಂಗೀಕರಿಸಲು ಕೋರಿರುತ್ತಾರೆ. ಅದರಂತೆ ಪರಿಶೀಲಿಸಿ, ಈ ಕೆಳಕಂಡಂತೆ ಆದೇಶ ಹೊರಡಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಆಕುಕ 332 ಹೆಚ್‌ಎಸ್‌ಹೆಚ್ 2008, ಬೆಂಗಳೂರು, ದಿನಾಂಕ: 1ನೇ ಜುಲೈ 2008.**

ಪ್ರಸ್ತಾವನೆಯಲ್ಲಿ ವಿವರಿಸಲಾದ ಕಾರಣಗಳಿಂದಾಗಿ ಡಾ: ಶ್ರೀನಾಥ ಎಸ್.ಆರ್. ವೈದ್ಯಾಧಿಕಾರಿ, ಚಿಗಟೇರಿ ಜಿಲ್ಲಾ ಆಸ್ಪತ್ರೆ, ದಾವಣಗೆರ ಇವರು ತಮ್ಮ ಹುದ್ದೆಗೆ ಸಲ್ಲಿಸಿರುವ ರಾಜೀನಾಮೆಯನ್ನು ದಿನಾಂಕ 31–10–2006 ರಿಂದ ಅನ್ವಯವಾಗುವಂತೆ ಸರ್ಕಾರವು ಅಂಗೀಕರಿಸಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1017

**ಐ. ಹೇಮನಾಥ್**

ಸರ್ಕಾರದ ಅಧೀನ ಕಾರ್ಯದರ್ಶಿ,
ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆ (ಸೇವೆಗಳು–1)

**ವಿಷಯ :** ಡಾ: ಸಿ. ಮುನಿನಾರಾಯಣ, ಸಾಮಾನ್ಯ ಕರ್ತವ್ಯ ವೈದ್ಯಾಧಿಕಾರಿ, ಸಾರ್ವಜನಿಕ ಆಸ್ಪತ್ರೆ, ಶ್ರೀನಿವಾಸಪುರ, ಕೋಲಾರ ಜಿಲ್ಲೆ, ಇವರ ರಾಜೀನಾಮೆಯನ್ನು ಅಂಗೀಕರಿಸುವ ಬಗ್ಗೆ.

**ಓದಲಾಗಿದೆ:** 1. ಆಯುಕ್ತರು, ಆಕುಕ ಸೇವೆಗಳು, ಬೆಂಗಳೂರು, ಇವರ ಪತ್ರ ಸಂಖ್ಯೆ: ಜೆಆರ್ಒ (1) 7/2007–08, ದಿನಾಂಕ 7–8–2007 ಮತ್ತು 7–5–2008.

**ಪ್ರಸ್ತಾವನೆ :**

ಮೇಲೆ ಓದಲಾದ ಆಯುಕ್ತರು, ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಸೇವೆಗಳು, ಬೆಂಗಳೂರು, ಇವರ ಪತ್ರದಲ್ಲಿ ಡಾ: ಸಿ. ಮುನಿನಾರಾಯಣ, ಸಾಮಾನ್ಯ ಕರ್ತವ್ಯ ವೈದ್ಯಾಧಿಕಾರಿ, ಸಾರ್ವಜನಿಕ ಆಸ್ಪತ್ರೆ, ಶ್ರೀನಿವಾಸಪುರ, ಕೋಲಾರ ಜಿಲ್ಲೆ ಇವರು 17–7–2000ರಂದು ಸೇವೆಗೆ ಸೇರಿದ್ದು, ಕೌಟುಂಬಿಕ ಕಾರಣಗಳಿಂದ ಕರ್ತವ್ಯಕ್ಕೆ ಗೈರುಹಾಜರಾದ ದಿನಾಂಕ 16–6–2003ರಿಂದ ಅನ್ವಯವಾಗುವಂತೆ ರಾಜೀನಾಮೆಯನ್ನು ಅಂಗೀಕರಿಸುವಂತೆ ಮನವಿ ಸಲ್ಲಿಸಿರುತ್ತಾರೆ. ಸದರಿಯವರ ವಿರುದ್ಧ ಯಾವುದೇ ಇಲಾಖಾ ವಿಚಾರಣೆ ಬಾಕಿ ಇರುವುದಿಲ್ಲ ಹಾಗೂ ಸರ್ಕಾರಕ್ಕೆ ಯಾವುದೇ ಬಾಕಿ ಬರಬೇಕಾಗಿರುವುದಿಲ್ಲ–ವಾದ್ದರಿಂದ ಸದರಿ ವೈದ್ಯರ ರಾಜೀನಾಮೆಯನ್ನು ದಿನಾಂಕ 16–6–2003ರಿಂದ ಅಂಗೀಕರಿಸಲು ಪ್ರಸ್ತಾವನೆಯಲ್ಲಿ ತಿಳಿಸಿರುತ್ತಾರೆ. ಅದರಂತೆ ಪರಿಶೀಲಿಸಿ, ಈ ಕೆಳಕಂಡಂತೆ ಆದೇಶಿಸಿದೆ.

**ಸರ್ಕಾರಿ ಆದೇಶ ಸಂಖ್ಯೆ: ಆಕುಕ 571 ಹೆಚ್‌ಎಸ್‌ಹೆಚ್ 2007, ಬೆಂಗಳೂರು, ದಿನಾಂಕ: 1ನೇ ಜುಲೈ 2008.**

ಪ್ರಸ್ತಾವನೆಯಲ್ಲಿ ವಿವರಿಸಲಾದ ಹಿನ್ನೆಲೆಯಲ್ಲಿ ಡಾ: ಸಿ. ಮುನಿನಾರಾಯಣ, ಸಾಮಾನ್ಯ ಕರ್ತವ್ಯ ವೈದ್ಯಾಧಿಕಾರಿ, ಸಾರ್ವಜನಿಕ ಆಸ್ಪತ್ರೆ, ಶ್ರೀನಿವಾಸಪುರ, ಕೋಲಾರ ಜಿಲ್ಲೆ ಇವರು ತಮ್ಮ ಹುದ್ದೆಗೆ ಸಲ್ಲಿಸಿರುವ ರಾಜೀನಾಮೆಯನ್ನು ದಿನಾಂಕ 16–6–2003 ರಿಂದ ಜಾರಿಗೆ ಬರುವಂತೆ ಸರ್ಕಾರವು ಅಂಗೀಕರಿಸಿದೆ.

ಕರ್ನಾಟಕ ರಾಜ್ಯಪಾಲರ ಆಜ್ಞಾನುಸಾರ ಮತ್ತು ಅವರ ಹೆಸರಿನಲ್ಲಿ,

ಪಿ.ಆರ್. 1018

**ಐ. ಹೇಮನಾಥ್**

ಸರ್ಕಾರದ ಅಧೀನ ಕಾರ್ಯದರ್ಶಿ,
ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಇಲಾಖೆ (ಸೇವೆಗಳು–1)